ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ನೂರ ನಲವತ್ತಮೂರನೆಯ ಅಧಿವೇಶನ

ಗುರುವಾರ, ದಿನಾಂಕ: 4ನೇ ಫೆಬ್ರುವರಿ, 2021

ಫೀಲ್ಡ್ ಮಾರ್ಷಲ್ ಕೆ.ಎಂ.ಕಾರ್ಯಪ್ಪ ಹಾಗೂ ಜನರಲ್ ತಿಮ್ಮಯ್ಯನವರಿಗೆ ಮರಣೋತ್ತರ ಭಾರತ ರತ್ನ ಪ್ರಶಸ್ತಿ ನೀಡುವ ಕುರಿತು

ಶ್ರೀಮತಿ ಎಸ್.ವೀಣಾ ಅಚ್ಚಯ್ಯ (ವಿಧಾನಸಭೆಯಿಂದ ಚುನಾಯಿತರಾದವರು):-

398(480) ಮಾನ್ಯ ಮುಖ್ಯಮಂತ್ರಿಗಳು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ದೇಶದ ಹೆಮ್ಮೆಯ ವೀರ ಸೇನಾನಿಗಳಾದ ಫೀಲ್ಡ್ ಮಾರ್ಷಲ್ ಕೆ.ಎಂ. ಕಾರ್ಯಪ್ಪ ಹಾಗೂ ಜನರಲ್ ತಿಮ್ಮಯ್ಯನವರಿಗೆ ಮರಣೋತ್ತರ ಭಾರತ ರತ್ನ ಪ್ರಶಸ್ತಿ ನೀಡುವಂತೆ ಕೇಂದ್ರ ಸರ್ಕಾರಕ್ಕೆ ಈಗಾಗಲೇ ಪ್ರಸ್ತಾವನೆ ಸಲ್ಲಿಸಲಾಗಿದೆಯೇ;

(ಆ) ಸಲ್ಲಿಸದಿದ್ದಲ್ಲಿ, ದೇಶದ ಹೆಮ್ಮೆಯ ಈ ಇಬ್ಬರು ವೀರ ಸೇನಾನಿಗಳು ದೇಶಕ್ಕೆ ಸಲ್ಲಿಸಿರುವ ಅಪ್ರತಿಮ ಸೇವೆಗೆ ಗೌರವ ಸಲ್ಲಿಸುವ ದೃಷ್ಟಿಯಿಂದ, ಸದರಿಯವರಿಗೆ ಮರಣೋತ್ತರ ಭಾರತ ರತ್ನ ಪ್ರಶಸ್ತಿ ನೀಡುವಂತೆ ಕೇಂದ್ರ ಸರ್ಕಾರಕ್ಕೆ ಶಿಫಾರಸ್ಸು ಮಾಡಿ ಪ್ರಸ್ತಾವನೆ ಸಲ್ಲಿಸಲು ಸರ್ಕಾರ ಕ್ರಮ ವಹಿಸುವುದೇ?